ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 05 ನೇ ಫೆಬ್ರುವರಿ, 2021

ಅಂಗವಿಕಲ ಸರ್ಕಾರಿ ಅಧಿಕಾರಿಗಳ ಮುಂಬಡ್ತಿ ಮೀಸಲಾತಿ ಕುರಿತು

ಶ್ರೀ ಹೆಚ್. ಎಂ. ರಮೇಶ ಗೌಡ(ವಿಧಾನಸಭೆಯಿಂದ ಚುನಾಯಿತರಾದವರು) -

459 (533) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಮಾನ್ಯ ಸರ್ವೋಚ್ಚ ನ್ಯಾಯಾಲಯದ ಸಿವಿಲ್ ಅಪೀಲು ಸಂಖ್ಯೆ 1567/2017 ರಲ್ಲಿ ಅಂಗವಿಕಲ ಸರ್ಕಾರಿ ಅಧಿಕಾರಿ/ನೌಕರರಿಗೆ ಮುಂಬಡ್ತಿಯಲ್ಲಿ ಮೀಸಲಾತಿ ಕಲ್ಪಿಸಲು ಆದೇಶ ನೀಡಿದ್ದು ಅದರಂತೆ ಸರ್ಕಾರ ಯಾವ ಯಾವ ಕ್ರಮಗಳನ್ನು ಕೈಗೊಂಡಿದೆ; (ವಿವರ ನೀಡುವುದು)

(ಆ) ಅಂಗವಿಕಲ ವ್ಯಕ್ತಿಗಳ ಹಕ್ಕು ಅಧಿನಿಯಮ, 2016ರ ಸೆಕ್ಷನ್ 34 ರಡಿ ಅಂಗವಿಕಲ ಸರ್ಕಾರಿ ಅಧಿಕಾರಿ/ನೌಕರರಿಗೆ ಮುಂಬಡ್ತಿಯಲ್ಲಿ ಮೀಸಲಾತಿ ಕಲ್ಪಿಸುವ ಅವಕಾಶ ನೀಡಿದ್ದು, ಸರ್ಕಾರ ಕೈಗೊಂಡ ಕ್ರಮದ ಬಗ್ಗೆ ಸಂಪೂರ್ಣ ಮಾಹಿತಿ ನೀಡುವುದು;

(ಇ) ರಾಜ್ಯ ಸರ್ಕಾರದ ಅಡಿಯಲ್ಲಿ ಬರುವ ಇಲಾಖೆಗಳಲ್ಲಿ,(ನಿಗಮ/ಮಂಡಳಿ/ಪ್ರಾಧಿಕಾರಗಳು ಸೇರಿದಂತೆ) ಮಂಜೂರಾದ ಹುದ್ದೆಗಳ ಸಂಖ್ಯೆ, ಭರ್ತಿಯಾದ ಹುದ್ದೆಗಳ ಸಂಖ್ಯೆ, ಖಾಲಿ ಇರುವ ಹುದ್ದೆಗಳ ಸಂಖ್ಯೆ (ಗ್ರೂಪ್-ಎ, ಗ್ರೂಪ್-ಬಿ, ಗ್ರೂಪ್-ಸಿ, ಗ್ರೂಪ್-ಡಿ) ಎಷ್ಟು; ಮತ್ತು ಅಂಗವಿಕಲ ನೌಕರರ ಒಟ್ಟು ಸಂಖ್ಯೆ ಎಷ್ಟು? (ಸಂಪೂರ್ಣ ವಿವರ ನೀಡುವುದು)